


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ರಹಿತ ಪ್ರಶ್ನೆ**

ದಿನಾಂಕ : 18-03-2021 ಪ್ರಶ್ನೆ ಸಂಖ್ಯೆ : 1309(1550)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಎಂ. ಎ. ಗೋಪಾಲಸ್ವಾಮಿ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 18-03-2021

ಉತ್ತರಿಸುವ ಸಚಿವರು: ಮಾನ್ಯ ಸಣ್ಣ ನೀರಾವರಿ ಸಚಿವರು

ವಿಷಯ : ಕೆರೆ ಆಧುನೀಕರಣ ಯೋಜನೆಯಲ್ಲಿ ಕೈಗೊಂಡಿರುವ ಕಾಮಗಾರಿಗಳ ಬಗ್ಗೆ

(ಅ) 2018-19ನೇ ಸಾಲಿನಲ್ಲಿ ಕೆರೆ ಆಧುನೀಕರಣ ಯೋಜನೆಯಡಿ (MoT) ಚನ್ನರಾಯಪಟ್ಟಣ ತಾಲ್ಲೂಕಿನ 28 ಕೆರೆಗಳನ್ನು ಅಭಿವೃದ್ಧಿ ಪಡಿಸಲು ಅನುಮೋದನೆ ದೊರೆತಿದ್ದು, ಈ ಪೈಕಿ ಎಷ್ಟು ಕೆರೆಗಳನ್ನು ಅಭಿವೃದ್ಧಿ ಪಡಿಸಲಾಗಿದೆ; ಕೆರೆಗಳಲ್ಲಿ ಕೈಗೊಂಡಿರುವ ಕಾಮಗಾರಿಗಳು ಯಾವುವು; ಕಾಮಗಾರಿಗಳು ಯಾವ ಹಂತದಲ್ಲಿವೆ; ಕೆರೆವಾರು ಮಾಹಿತಿ ನೀಡುವುದು;

(ಆ) ಈ ಯೋಜನೆಯಡಿ ಅಭಿವೃದ್ಧಿಪಡಿಸಿರುವ ಮತಿಘಟ್ಟ ಕೆರೆಯ ಏರಿ ಭಾಗದಿಂದ ನೀರು ಲೀಕ್ ಆಗುತ್ತಿದ್ದು, ಇನ್ನೂ ಹಲವಾರು ಕೆರೆಗಳಲ್ಲಿ ಇಂತಹುದೇ ಕಳಪೆ ಕಾಮಗಾರಿಗಳ ಕೈಗೊಂಡಿರುವುದು ಇಲಾಖೆಯ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಸಂಬಂಧಪಟ್ಟ ಇಲಾಖೆ ಅಧಿಕಾರಿಗಳು ಮತ್ತು ಗುತ್ತಿಗೆದಾರರ ವಿರುದ್ಧ ಏನಾದರೂ ಕ್ರಮ ತೆಗದುಕೊಳ್ಳಲಾಗಿದೆಯೇ; (ವಿವರ ನೀಡುವುದು)

(ಇ) ಈ ಯೋಜನೆಯಡಿ ಆಯ್ಕೆಯಾಗಿರುವ ಹಲವಾರು ಕೆರೆಗಳಲ್ಲಿ ನೀರು ತುಂಬಿರುವುದರಿಂದ ಕಾಮಗಾರಿಗಳನ್ನು ಕೈಗೊಳ್ಳಲು ಸಾಧ್ಯವಾಗದೇ ಇದ್ದರೂ ಕೂಡ ಈ ಕೆರೆಗಳಲ್ಲಿ ಹೂಳೆತ್ತುವ ಮತ್ತು ಇತರೆ ಕಾಮಗಾರಿಗಳನ್ನು ಮಾಡಲಾಗಿದೆ ಎಂದು ದಾಖಲೆಗಳನ್ನು ಸೃಷ್ಟಿಸಿ ಗುತ್ತಿಗೆದಾರರಿಗೆ ಬಿಲ್ ಪಾವತಿ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ ಈ ಸಂಬಂಧ ಕೈಗೊಂಡಿರುವ ಕ್ರಮಗಳೇನು;

(ಈ) ಈ ಕಾಮಗಾರಿಗಳನ್ನು ಯಾವ ಕಾಲಮಿತಿಯೊಳಗೆ ಪೂರ್ಣಗೊಳಿಸಬೇಕು; ಕಾಮಗಾರಿಗಳಿಗಾಗಿ ಮಂಜೂರಾದ ಹಾಗೂ ಬಿಡುಗಡೆಯಾಗಿರುವ ಅನುದಾನವೆಷ್ಟು; ಇದರಲ್ಲಿ ಗುತ್ತಿಗೆದಾರರಿಗೆ ಬಿಡುಗಡೆ ಮಾಡಿರುವ ಅನುದಾನವೆಷ್ಟು; ಕೆರೆವಾರು ವಿವರ ನೀಡುವುದು?